ಕರ್ನಾಟಕ ವಿಧಾನ ಪರಿಷತ್ತು

| | |
|---|---|
| ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ | 1717 |
| ಮಾನ್ಯ ಸದಸ್ಯರ ಹೆಸರು | ಶ್ರೀ ಎಸ್ ನಾಗರಾಜ್ (ಸಂದೇಶ್ ನಾಗರಾಜ್) |
| ಉತ್ತರಿಸಬೇಕಾದ ದಿನಾಂಕ | 23.03.2020 |
| ಉತ್ತರಿಸುವ ಸಚಿವರು | ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಹಾಗೂ ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರು |

| ಕ್ರ.ಸಂ. | ಪ್ರಶ್ನೆ | ಉತ್ತರ |
|---|---|---|
| ಅ | ಮೈಸೂರು ಜಿಲ್ಲೆ, ಟಿ.ನರಸೀಪುರ ಸಾರ್ವಜನಿಕ ಆಸ್ಪತ್ರೆಯ ಸುತ್ತಮುತ್ತ ವಿದ್ಯುತ್ ದೀಪದ ವ್ಯವಸ್ಥೆಯಿಲ್ಲದೆ, ಸಾರ್ವಜನಿಕರು ಹಾಗೂ ರೋಗಿಗಳು ರಾತ್ರಿ ವೇಳೆಯಲ್ಲಿ ಓಡಾಡಲು ತೊಂದರೆ ಆಗುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ, ಕೂಡಲೇ ಈ ಆಸ್ಪತ್ರೆಯ ಆವರಣ ಹಾಗೂ ಸುತ್ತಮುತ್ತ ಪ್ರಖರ ವಿದ್ಯುತ್ ದೀಪಗಳ ವ್ಯವಸ್ಥೆ ಮಾಡಲಾಗುವುದೇ; | ಟಿ.ನರಸೀಪುರ ಸಾರ್ವಜನಿಕ ಆಸ್ಪತ್ರೆ ಆವರಣದಲ್ಲಿ ಹೈ ಮಾಸ್ಕ್ ದೀಪಗಳನ್ನು ಅಳವಡಿಸಲಾಗಿದ್ದು, ಸಾರ್ವಜನಿಕರಿಗೆ ಹಾಗೂ ರೋಗಿಗಳಿಗೆ ಯಾವುದೇ ರೀತಿಯಲ್ಲಿ ತೊಂದರೆಯಾಗದಂತೆ ಕ್ರಮ ವಹಿಸಲಾಗಿರುತ್ತದೆ. |
| ಆ | ಈ ಆಸ್ಪತ್ರೆಯಲ್ಲಿ ಸ್ವಚ್ಛತೆಯ ಕೊರತೆ ಇರುವುದು, ಪ್ರತಿ ದಿನ ರೋಗಿಗಳ ಹಾಸಿಗೆ ಹೊದಿಕೆಯನ್ನು ಶುಚಿಗೊಳಿಸಿ ಬದಲಾಯಿಸದಿರುವುದು, ಇದರಿಂದ ರೋಗಿಗಳಿಗೆ ಸೋಂಕು ಹಾಗೂ ರೋಗ ಉಲ್ಬಣವಾಗುವ ಪರಿಸ್ಥಿತಿ ನಿರ್ಮಾಣವಾಗಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ, ಸಂಬಂದಪಟ್ಟವರ ಮೇಲೆ ಕೂಡಲೇ ಕ್ರಮ ಜರುಗಿಸಲಾಗುವುದೇ? | ಆಸ್ಪತ್ರೆಯಲ್ಲಿ ಪ್ರತಿ ದಿನ ಮೂರು ಬಾರಿ Sodium Hypochlorite Solution ದ್ರಾವಣವನ್ನು ಮಿಶ್ರಣ ಮಾಡಿ ವಾರ್ಡ್‌ಗಳು, ವರಾಂಡ ಹಾಗೂ ಆಸ್ಪತ್ರೆಯ ಎಲ್ಲಾ ವಿಭಾಗಗಳನ್ನು ಶುಚಿಗೊಳಿಸಲಾಗುತ್ತಿದೆ.<br><br>ಪ್ರತಿ ದಿವಸ ಹಾಸಿಗೆಗಳ ಹೊದಿಕೆಗಳನ್ನು ಬದಲಾಯಿಸಲಾಗುತ್ತಿದೆ. ಆಸ್ಪತ್ರೆಯಲ್ಲಿ ಅಗತ್ಯ ಹೊದಿಕೆಗಳ ದಾಸ್ತಾನು ಲಭ್ಯವಿದ್ದು, ಯಾವುದೇ ರೀತಿಯಲ್ಲಿ ಸೋಂಕು ಹರಡದಂತೆ ಕ್ರಮವಹಿಸಲಾಗುತ್ತಿದೆ.<br><br>ಸಾರ್ವಜನಿಕರಿಂದ ಈ ಬಗ್ಗೆ ಯಾವುದೇ ರೀತಿಯ ದೂರುಗಳು ಬಂದಲ್ಲಿ ಸಂಬಂಧಿಸಿದ ತಾಲ್ಲೂಕು ನೋಡೆಲ್ ಅಧಿಕಾರಿಗಳಿಗೆ ಮಾಹಿತಿ ನೀಡಿ ಈ ಬಗ್ಗೆ ಕ್ರಮವಹಿಸಿ ವರದಿ ಸಲ್ಲಿಸಲು ಸೂಚಿಸಲಾಗಿರುತ್ತದೆ. |

ಆಕುಕ 61 ಎಸ್‌ಬಿವಿ 2020

(ಬಿ. ಶ್ರೀರಾಮುಲು)
ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಹಾಗೂ
ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರು